


# ಕರ್ನಾಟಕ ವಿಧಾನಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 15-03-2021 ಪ್ರಶ್ನೆ ಸಂಖ್ಯೆ : 993(1168)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಮರಿತಿಬ್ಬೇಗೌಡ(ಶಿಕ್ಷಕರ ಕ್ಷೇತ್ರ )

ಉತ್ತರ ನೀಡಬೇಕಾದ ದಿನಾಂಕ : 15-03-2021

ಉತ್ತರಿಸುವ ಸಚಿವರು: ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು

ವಿಷಯ : ಬಡ್ತಿ, ಶಿಕ್ಷಕರ ವೇತನ ತಾರತಮ್ಯ ಸರಿಪಡಿಸುವ ಬಗ್ಗೆ

(ಅ) ಪ್ರಾಥಮಿಕ ಶಾಲೆಯಿಂದ ಪ್ರೌಢ ಶಾಲೆಗೆ ಪ್ರೌಢ ಶಾಲೆಯಿಂದ ಪದವಿಪೂರ್ವ ಕಾಲೇಜಿಗೆ ಬಡ್ತಿ ಪಡೆದ ಶಿಕ್ಷಕರು, ಬಡ್ತಿ ಪಡೆಯದೆ ಇರುವ ಶಿಕ್ಷಕರಿಗಿಂತ ಕಡಿಮೆ ವೇತನ ಪಡೆಯುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಸದರಿ ವೇತನ ತಾರತಮ್ಯವನ್ನು ಸರಿಪಡಿಸಲು 6ನೇ ವೇತನ ಆಯೋಗ ಶಿಫಾರಸ್ಸು ಮಾಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಇ) ಹಾಗಾದರೆ, 6ನೇ ವೇತನ ಆಯೋಗದ ಶಿಫಾರಸ್ಸಿನ ಪ್ರಕಾರ ಸರ್ಕಾರ ಕೈಗೊಂಡಿರುವ ಕ್ರಮಗಳೇನು; (ವಿವರ ನೀಡುವುದು)

(ಈ) ಯಾವ ಕಾಲಮಿತಿಯಲ್ಲಿ ಸದರಿ ವೇತನ ತಾರತಮ್ಯವನ್ನು ಸರಿಪಡಿಸಲಾಗುವುದು?